# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 674 |
| ಸದಸ್ಯರ ಹೆಸರು | : | ಶ್ರೀ ಕೆ. ಪ್ರತಾಪಚಂದ್ರ ಶೆಟ್ಟಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸುವ ದಿನಾಂಕ | : | 17-09-2021. |
| ಉತ್ತರಿಸುವವರು | : | ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು. |

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಉಡುಪಿ ಜಿಲ್ಲೆಯಲ್ಲಿ ಗ್ರಾಮ ಪಂಚಾಯಿತಿಗಳಿಗೆ ಮಂಜೂರಾತಿಯಾದ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಮತ್ತು ಕಾರ್ಯದರ್ಶಿ ಹುದ್ದೆಗಳ ಸಂಖ್ಯೆ ಎಷ್ಟು; ಪ್ರಸ್ತುತ ಕಾರ್ಯನಿರ್ವಹಿಸುತ್ತಿರುವ ಹುದ್ದೆಗಳ ಸಂಖ್ಯೆ ಎಷ್ಟು; ಕೊರತೆಯಿರುವ ಹುದ್ದೆಗಳ ಸಂಖ್ಯೆ ಎಷ್ಟು; ಕೊರತೆಯನ್ನು ಯಾವಾಗ ತುಂಬಲಾಗುವುದು; ಪಿ.ಡಿ.ಓ. ಹುದ್ದೆಯ ಪ್ರಭಾರವನ್ನು ನೀಡಿದ ಕಾರ್ಯದರ್ಶಿಗಳ ಸಂಖ್ಯೆ ಎಷ್ಟು; ಒಂದಕ್ಕಿಂತ ಹೆಚ್ಚು ಗ್ರಾಮ ಪಂಚಾಯಿತಿಗಳ ಪ್ರಭಾರವನ್ನು ವಹಿಸಿಕೊಂಡ ಪಂಚಾಯಿತಿ ಅಭಿವೃದ್ಧಿ ಅಧಿಕಾರಿಗಳು ಸಂಖ್ಯೆ ಎಷ್ಟು; ಎರಡಕ್ಕಿಂತ ಹೆಚ್ಚು ಗ್ರಾಮ ಪಂಚಾಯಿತಿಗಳ ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆ ಪ್ರಭಾರವನ್ನು ಕಾರ್ಯದರ್ಶಿಗಳಿಗೆ ನೀಡಲಾಗಿದೆಯೇ; ಹೌದಾದಲ್ಲಿ, ಕಾರಣವೇನು; | ಉಡುಪಿ ಜಿಲ್ಲೆಯ ಗ್ರಾಮ ಪಂಚಾಯಿತಿಗಳಿಗೆ 155 ಪಂಚಾಯಿತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳು ಮಂಜೂರಾಗಿರುತ್ತವೆ. ಇವುಗಳ ಪೈಕಿ 137 ಹುದ್ದೆಗಳಲ್ಲಿ ಪಂಚಾಯತಿ ಅಭಿವೃದ್ಧಿ ಅಧಿಕಾರಿಗಳು ಕರ್ತವ್ಯ ನಿರ್ವಹಿಸುತ್ತಿದ್ದಾರೆ. ಉಳಿದ 18 ಹುದ್ದೆಗಳು ಖಾಲಿ ಇರುತ್ತವೆ. (9 ಹುದ್ದೆ ನೇರ ನೇಮಕಾತಿ ಕೋಟಾ, 9 ಹುದ್ದೆ ಬಡ್ತಿ ಕೋಟಾ)<br><br>ಉಡುಪಿ ಜಿಲ್ಲೆಯ ಗ್ರಾಮ ಪಂಚಾಯಿತಿಗಳಿಗೆ 57 ಗ್ರಾಮ ಪಂಚಾಯತಿ ಕಾರ್ಯದರ್ಶಿ ಹುದ್ದೆಗಳು ಮಂಜೂರಾಗಿರುತ್ತವೆ. ಇವುಗಳ ಪೈಕಿ 47 ಹುದ್ದೆಗಳಲ್ಲಿ ಗ್ರಾಮ ಪಂಚಾಯತಿ ಕಾರ್ಯದರ್ಶಿಗಳು ಕರ್ತವ್ಯ ನಿರ್ವಹಿಸುತ್ತಿರುತ್ತಾರೆ. ಉಳಿದ 10 ಹುದ್ದೆಗಳು ಖಾಲಿ ಇರುತ್ತವೆ. (8 ಹುದ್ದೆ ನೇರ ನೇಮಕಾತಿ ಕೋಟಾ, 2 ಹುದ್ದೆ ಬಡ್ತಿ ಕೋಟಾ)<br><br>ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹಾಗೂ ಗ್ರಾಮ ಪಂಚಾಯತಿ ಕಾರ್ಯದರ್ಶಿ ಹುದ್ದೆಗಳ ಬಡ್ತಿ ಕೋಟಾದಡಿ ಖಾಲಿಯಿರುವ ಹುದ್ದೆಗಳಿಗೆ ಉಡುಪಿ ಜಿಲ್ಲಾ ಪಂಚಾಯತ್ ಹಂತದಲ್ಲಿ ಪದೋನ್ನತಿ ಮೂಲಕ ಭರ್ತಿ ಮಾಡಲು ಕ್ರಮವಹಿಸಲಾಗುತ್ತಿದೆ.<br><br>19 ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಗೆ ಗ್ರಾಮ ಪಂಚಾಯತಿ ಕಾರ್ಯದರ್ಶಿಗಳನ್ನು ಪ್ರಭಾರದಲ್ಲಿರಿಸಲಾಗಿದೆ.<br><br>18 ಅಧಿಕಾರಿಗಳು ಒಂದಕ್ಕಿಂತ ಹೆಚ್ಚು ಗ್ರಾಮ ಪಂಚಾಯಿತಿಗಳ ಪ್ರಭಾರವನ್ನು ವಹಿಸಿಕೊಂಡಿರುತ್ತಾರೆ.<br><br>ಎರಡಕ್ಕಿಂತ ಹೆಚ್ಚು ಗ್ರಾಮ ಪಂಚಾಯತಿಗಳ ಪಂಚಾಯತ್ ಅಧಿಕಾರಿ ಹುದ್ದೆ ಪ್ರಭಾರವನ್ನು ಗ್ರಾಮ ಪಂಚಾಯತಿ ಕಾರ್ಯದರ್ಶಿಗಳಿಗೆ ನೀಡಲಾಗಿರುವುದಿಲ್ಲ. |

| | | |
|---|---|---|
| (ಆ) | ವಿವಿಧ ಪ್ರಾಧಿಕಾರಿಗಳಲ್ಲಿ ದೂರುಗಳಿಗೆ ಸಂಬಂಧಿಸಿದಂತೆ ಈಗ ತನಿಖಾ ಹಂತದಲ್ಲಿರುವ ಪ್ರಕರಣವನ್ನು ಹೊಂದಿದ ಉಡುಪಿ ಜಿಲ್ಲಾ ಪಂಚಾಯಿತಿ ಕಛೇರಿಯಲ್ಲಿ ಕಾರ್ಯನಿರ್ವಹಿಸುತ್ತಿರುವ ಅಧಿಕಾರಿಗಳು ಮತ್ತು ಸಿಬ್ಬಂದಿಗಳ ಸಂಖ್ಯೆ ಎಷ್ಟು; (ಅಧಿಕಾರಿ ಮತ್ತು ಸಿಬ್ಬಂದಿವಾರು ಮಾಹಿತಿಯನ್ನು ನೀಡುವುದು) ಈ ಅಧಿಕಾರಿ ಮತ್ತು ಸಿಬ್ಬಂದಿಗಳನ್ನು ಅದೇ ಸ್ಥಳ ಮತ್ತು ಹುದ್ದೆಯಲ್ಲಿ ಮುಂದುವರಿಸಿದ ಪ್ರಕರಣಗಳೇಷ್ಟು; (ಸಂಪೂರ್ಣ ಮಾಹಿತಿ ನೀಡುವುದು) | ಯಾವುದು ಪ್ರಕರಣ ಇರುವುದಿಲ್ಲ. |
| (ಇ) | ಕಳೆದ 2 ವರ್ಷಗಳಲ್ಲಿ ಜಿಲ್ಲಾ ಪಂಚಾಯಿತಿಗಳಿಂದ ಇಲಾಖಾ ಸ್ಪಷ್ಟೀಕರಣ ಕೋರಿ ಸಲ್ಲಿಸಿದ ಪತ್ರಗಳ ಸಂಖ್ಯೆ ಎಷ್ಟು; ಈ ಪತ್ರ ವ್ಯವಹಾರಗಳನ್ನು ಭ್ರಷ್ಟಾಚಾರಕ್ಕೆ ಪೂರಕವಾದ ವಾತಾವರಣವನ್ನು ನಿರ್ಮಿಸಲೆಂದೇ ನಡೆಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹೌದಾದಲ್ಲಿ, ಸರ್ಕಾರದ ಕ್ರಮವೇನು? | ಇಂತಹ ಪ್ರಕರಣ ಇರುವುದಿಲ್ಲ. |

ಸಂ. ಗ್ರಾಅಪ 332 ಗ್ರಾಪಂಅ 2021

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.

ಕೆ.ಎಸ್. ಈಶ್ವರಪ್ಪ
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು